ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತೊಂದನೆಯ ಅಧಿವೇಶನ

ಸೋಮವಾರ, ದಿನಾಂಕ : 21 ನೇ ಸೆಪ್ಟೆಂಬರ್, 2020

ಉತ್ತರ ಕರ್ನಾಟಕದಲ್ಲಿ ಸರ್ಕಾರಿ ಪದವಿ ಕಾಲೇಜುಗಳಿಗೆ ಸ್ವಂತ ಕಟ್ಟಡ ಇಲ್ಲದಿರುವ ಕುರಿತು

ಶ್ರೀ ಯು. ಬಿ. ವೆಂಕಟೇಶ್(ನಾಮ ನಿರ್ದೇಶನ ಹೊಂದಿದವರು) -

121 (118) ಮಾನ್ಯ ಉಪ ಮುಖ್ಯಮಂತ್ರಿಗಳು ಹಾಗೂ ಉನ್ನತ ಶಿಕ್ಷಣ, ಐ.ಟಿ. ಬಿ.ಟಿ. ಹಾಗೂ ವಿಜ್ಞಾನ ತಂತ್ರಜ್ಞಾನ ಮತ್ತು ಕೌಶಲ್ಯಾಭಿವೃದ್ಧಿ ಉದ್ಯಮಶೀಲತೆ ಮತ್ತು ಜೀವನೋಪಾಯ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ -

(ಅ) ಉತ್ತರ ಕರ್ನಾಟಕ ಭಾಗದಲ್ಲಿ ಸರ್ಕಾರಿ ಪದವಿ ಕಾಲೇಜುಗಳಿಗೆ ಸ್ವಂತ ಕಟ್ಟಡ ಇಲ್ಲದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; (ಜಿಲ್ಲಾವಾರು ವಿವರ ನೀಡುವುದು)

(ಆ) ಕಳೆದ 3 ವರ್ಷಗಳಲ್ಲಿ ಸರ್ಕಾರಿ ಪದವಿ ಕಾಲೇಜುಗಳಿಗೆ ಮೂಲ ಸೌಕರ್ಯ ಹಾಗೂ ಕಟ್ಟಡಗಳಿಗೆ ಬಿಡುಗಡೆ ಮಾಡಿದ ಅನುದಾನವೆಷ್ಟು; (ತಾಲ್ಲೂಕುವಾರು ವಿವರ ನೀಡುವುದು)

(ಇ) ಸದರಿ ಕಾಲೇಜುಗಳಿಗೆ ಮೂಲ ಸೌಕರ್ಯ ನೀಡದಿರುವುದರಿಂದ ವಿದ್ಯಾರ್ಥಿಗಳಿಗೆ ತೊಂದರೆಯಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಈ) ಹೊಸ ತಂತ್ರಜ್ಞಾನ ಅಳವಡಿಸಿ ಬೋಧನೆ ಮಾಡಲು ಯಾವ ಕ್ರಮ ಜರುಗಿಸಲಾಗಿದೆ?